# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 393

ಉತ್ತರಿಸಬೇಕಾದ ದಿನಾಂಕ : 17.07.2019

ಸದಸ್ಯರ ಹೆಸರು : ಶ್ರೀ ಧರ್ಮಸೇನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರಿಸುವ ಸಚಿವರು : ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಹಾಗೂ ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರು.

| ಕ್ರಸಂ | ಪ್ರಶ್ನೆ | ಉತ್ತರ |
|---|---|---|
| 1 | ರಾಜ್ಯದಲ್ಲಿರುವ ಕ್ರೀಡಾ ವಿದ್ಯಾರ್ಥಿ ನಿಲಯಗಳ ಸಂಖ್ಯೆ ಎಷ್ಟು;<br>ಮೈಸೂರು ಮತ್ತು ಚಾಮರಾಜನಗರ ಜಿಲ್ಲೆಗಳಲ್ಲಿರುವ ಕ್ರೀಡಾ ವಿದ್ಯಾರ್ಥಿ ನಿಲಯಗಳ ಸಂಖ್ಯೆ ಎಷ್ಟು; | ರಾಜ್ಯದಲ್ಲಿ ಒಟ್ಟು 34 ಕ್ರೀಡಾ ವಸತಿ ಶಾಲೆ/ನಿಲಯಗಳಿವೆ.<br><br>ಮೈಸೂರು ಮತ್ತು ಚಾಮರಾಜನಗರ ಜಿಲ್ಲೆಗಳಲ್ಲಿರುವ ಕ್ರೀಡಾ ವಸತಿ ನಿಲಯಗಳ ವಿವರ ಇಂತಿದೆ.<br>• ಕ್ರೀಡಾ ವಸತಿ ನಿಲಯ, ಚಾಮುಂಡಿ ವಿಹಾರ ಕ್ರೀಡಾಂಗಣ ಆವರಣ, ಮೈಸೂರು ಜಿಲ್ಲೆ, ಮೈಸೂರು.<br>• ಕ್ರೀಡಾ ವಸತಿ ನಿಲಯ, ಚಾಮರಾಜನಗರ ಜಿಲ್ಲಾ ಕ್ರೀಡಾಂಗಣ ಆವರಣ, ಚಾಮರಾಜನಗರ.<br>• ಕ್ರೀಡಾ ವಸತಿ ನಿಲಯ, ಸಂತೆಮರಹಳ್ಳಿ, ಚಾಮರಾಜನಗರ ಜಿಲ್ಲೆ, ಚಾಮರಾಜನಗರ. |
| 2 | ಅದರಲ್ಲಿ ಪುರುಷರಿಗೆ ಮತ್ತು ಮಹಿಳೆಯರಿಗಿರುವ ವಿದ್ಯಾರ್ಥಿ ನಿಲಯಗಳೆಷ್ಟು? | • ಮೈಸೂರಿನ ಚಾಮುಂಡಿ ವಿಹಾರ ಕ್ರೀಡಾಂಗಣದ ಆವರಣದಲ್ಲಿರುವ ಕ್ರೀಡಾ ವಸತಿ ನಿಲಯದಲ್ಲಿ 5 ರಿಂದ 7ನೇ ತರಗತಿವರೆಗೆ ಬಾಲಕ:ಬಾಲಕಿಯರಿಬ್ಬರಿಗೂ ಪ್ರವೇಶ ನೀಡಲಾಗುತ್ತಿದ್ದು, 8ನೇ ತರಗತಿಯಿಂದ ಪದವಿ ಹಂತದವರೆಗೆ ಬಾಲಕಿಯರ ಕ್ರೀಡಾ ವಸತಿ ನಿಲಯ ಮಾತ್ರ ಇರುತ್ತದೆ.<br>• ಚಾಮರಾಜನಗರ ಜಿಲ್ಲೆಯ ಜಿಲ್ಲಾ ಕ್ರೀಡಾಂಗಣದ ಆವರಣ ಮತ್ತು ಸಂತೆಮರಳ್ಳಿ ಕ್ರೀಡಾ ವಸತಿ ನಿಲಯಗಳಲ್ಲಿ ಬಾಲಕರಿಗೆ ಪ್ರವೇಶ ನೀಡಲಾಗಿದೆ. ಚಾಮರಾಜನಗರದಲ್ಲಿ 2019-20 ನೇ ಸಾಲಿನಲ್ಲಿ ಮಹಿಳಾ ಕ್ರೀಡಾಪಟುಗಳಿಗೆ ಪ್ರತ್ಯೇಕ ಕ್ರೀಡಾ ವಸತಿ ನಿಲಯ ಕಟ್ಟಡ ನಿರ್ಮಾಣದ ಕುರಿತು ಆಯವ್ಯಯ ಘೋಷಣೆ ಮಾಡಲಾಗಿದ್ದು, ಮುಂದಿನ ಕ್ರಮ ಕೈಗೊಳ್ಳಲಾಗುತ್ತಿದೆ. |
| 3 | ಎಲ್ಲಾ ಜಿಲ್ಲಾ ಕೇಂದ್ರಗಳಲ್ಲಿ ಕ್ರೀಡೆಗೆ ಪ್ರೋತ್ಸಾಹ ನೀಡುವ ಉದ್ದೇಶದಿಂದ ಕ್ರೀಡಾ ವಿದ್ಯಾರ್ಥಿ ನಿಲಯಗಳನ್ನು ಸ್ಥಾಪಿಸಲು ಸರ್ಕಾರ ಕೈಗೊಳ್ಳುವುದೇ? | ರಾಜ್ಯದ ಎಲ್ಲಾ 30 ಜಿಲ್ಲೆಗಳ ಜಿಲ್ಲಾ ಕೇಂದ್ರಗಳಲ್ಲಿ ಕ್ರೀಡಾ ವಸತಿ ನಿಲಯಗಳನ್ನು ಸ್ಥಾಪಿಸಲಾಗಿದೆ. |

ವೈಎಸ್ ಡಿ-/22/2019

(ಕೆ.ಎಸ್. ಈಶ್ವರಪ್ಪ)
ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್
ಹಾಗೂ ಯುವ ಸಬಲೀಕರಣ ಮತ್ತು
ಕ್ರೀಡಾ ಸಚಿವರು.